# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ : (13) 169
ಸದಸ್ಯರ ಹೆಸರು : ಶ್ರೀ ಶರಣಪ್ಪ ಮಟ್ಟೂರ (ಶಿಕ್ಷಕರ ಕ್ಷೇತ್ರ)
ಉತ್ತರಿಸಬೇಕಾದ ದಿನಾಂಕ : 16.07.2019
ಉತ್ತರಿಸುವ ಸಚಿವರು : ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು

| ಕ್ರ ಸಂ. | ಪ್ರಶ್ನೆ | ಉತ್ತರ |
|---|---|---|
| ಅ. | ಸುಮಾರು ವರ್ಷಗಳಿಂದ ಪ್ರೌಢಶಾಲಾ ಸಹ ಶಿಕ್ಷಕರಿಂದ ಮುಖ್ಯ ಗುರುಗಳ ಹುದ್ದೆಗೆ ಹಾಗೂ ಪ್ರೌಢ ಶಾಲಾ ಶಿಕ್ಷಕರಿಗೆ, ಪದವಿ ಪೂರ್ವ ಕಾಲೇಜಿನ ಉಪನ್ಯಾಸಕರ ಹುದ್ದೆಗಳಿಗೆ ಬಡ್ತಿ ನೀಡದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಪ್ರೌಢ ಶಾಲಾ ಸಹ ಶಿಕ್ಷಕರ ವೃಂದದಿಂದ ಮುಖ್ಯ ಶಿಕ್ಷಕರ ವೃಂದಕ್ಕೆ ಬಡ್ತಿ ನೀಡದೆ ಇರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆ.<br><br>ಆದರೆ 2011ರಲ್ಲಿ ಅರ್ಹ 487 ಮತ್ತು 697 ಪ್ರೌಢಶಾಲಾ ಸಹ ಶಿಕ್ಷಕರುಗಳಿಗೆ ಉಪನ್ಯಾಸಕರ ವೃಂದಕ್ಕೆ ಮುಂಬಡ್ತಿ ನೀಡಲಾಗಿದೆ.<br><br>ಮುಂಬಡ್ತಿ ಕೋಟಾದಡಿ ಹುದ್ದೆಗಳು ಖಾಲಿ ಇಲ್ಲದೆಯಿರುವುದರಿಂದ ಪ್ರಸ್ತುತ ಅಂತಹ ಪ್ರೌಢಶಾಲಾ ಶಿಕ್ಷಕರುಗಳಿಗೆ ಉಪನ್ಯಾಸಕರ ಹುದ್ದೆಗಳಿಗೆ ಮುಂಬಡ್ತಿ ನೀಡಲು ಅವಕಾಶ ಇರುವುದಿಲ್ಲ. |
| ಆ | ಬಂದಿದ್ದರೆ, ಯಾವ ಕಾಲಮಿತಿಯೊಳಗೆ ಬಡ್ತಿಯನ್ನು ನೀಡಲಾಗುವುದು? (ಸಂಪೂರ್ಣ ಮಾಹಿತಿ ನೀಡುವುದು). | ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 186 ಎಸ್‌ಆರ್‌ಎಸ್2018 ದಿನಾಂಕ:27/02/2019ರಲ್ಲಿ ಮಾನ್ಯ ಸರ್ವೋಚ್ಚ ನ್ಯಾಯಾಲಯದಲ್ಲಿದ್ದತಂಹ ಪ್ರಕರಣಗಳು ಇತ್ಯರ್ಥವಾದ ಹಿನ್ನೆಲೆಯಲ್ಲಿ ಕರ್ನಾಟಕ ಸರ್ಕಾರಿ ನೌಕರರ (ಜೇಷ್ಠತೆ) ನಿಯಮಗಳು 1957ರ ನಿಯಮ 10ರಂತೆ ಜೇಷ್ಠತೆ ಅಧಿನಿಯಮ 2017ರನ್ವಯ ಹಾಗೂ ಸರ್ಕಾರದ ಸುತ್ತೋಲೆ ಸಂಖ್ಯೆ: ಸಿಆಸುಇ 3 ಎಸ್‌ಆರ್‌ಎಸ್ 2019, ದಿನಾಂಕ:04/06/2019ರನ್ವಯ ಕರ್ನಾಟಕ ರಾಜ್ಯದ ಸಿವಿಲ್ ಸೇವೆಗಳಲ್ಲಿನ ಹುದ್ದೆಗಳಿಗೆ ಮೀಸಲಾತಿ ಆಧಾರದ ಮೇಲೆ ಬಡ್ತಿ ಹೊಂದಿರುವ ಸರ್ಕಾರಿ ನೌಕರರಿಗೆ ತತ್ಪರಿಣಾಮವಾದ ಜೇಷ್ಠತೆಯನ್ನು ವಿಸ್ತರಿಸುವ ಅಧಿನಿಯಮ 2017ರನ್ವ ಪರಿಷ್ಕೃತ ಜೇಷ್ಠತಾ ಪಟ್ಟಿಯನ್ನು ಪ್ರಕಟಿಸಲು ಆದೇಶವಾಗಿರುತ್ತದೆ. ಅದರಂತೆ ಪ್ರೌಢ ಶಾಲಾ ಸಹ ಶಿಕ್ಷಕರ ಜೇಷ್ಠತಾ ಪಟ್ಟಿಯನ್ನು ಮೀಸಲಾತಿ ಅನುಗುಣವಾಗಿ ಪರಿಷ್ಕರಸಿ ಅಂತಿಮಗೊಳಿಸುವ ಪ್ರಕ್ರಿಯೆ ಚಾಲ್ತಿಯಲ್ಲಿದ್ದು, ಅಂತಿಮ ಪ್ರಕ್ರಿಯೆ ಮುಗಿದ ನಂತರ ಶೀಘ್ರದಲ್ಲಿ ಸಹ ಶಿಕ್ಷಕರ ವೃಂದದಿಂದ ಮುಖ್ಯ ಶಿಕ್ಷಕರ ಹುದ್ದೆಗೆ ಮುಂಬಡ್ತಿ ನೀಡುವ ಪ್ರಕ್ರಿಯೆಗೆ ಚಾಲನೆ ನೀಡಲಾಗುವುದು. |

ಸಂಖ್ಯೆ: ಇಪಿ 24 ಎಸ್‌ಓಹೆಚ್ 2019

(ಎಸ್. ಆರ್ ಶ್ರೀನಿವಾಸ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು.